# ಕರ್ನಾಟಕ ವಿಧಾನಸಭೆ

ಹದಿನಾಲ್ಕನೇ ವಿಧಾನಸಭೆ
(ಮೊದಲನೇ ಅಧಿವೇಶನ)
(ಮುಂದುವರೆದ ಉಪವೇಶನ)

## ಕಾರ್ಯಕಲಾಪಗಳ ಪಟ್ಟಿ

ಬುಧವಾರ, ದಿನಾಂಕ 31ನೇ ಜುಲೈ, 2013
(ಸಮಯ: ಬೆಳಗ್ಗೆ 11.00 ಗಂಟೆಗೆ)

-----

### 1. ವಿತ್ತೀಯ ಕಾರ್ಯಕಲಾಪಗಳು

ಶ್ರೀ ಸಿದ್ದರಾಮಯ್ಯ (ಮುಖ್ಯಮಂತ್ರಿಗಳು) ಅವರು ಭಾರತದ ಸಂವಿಧಾನದ ಅನುಚ್ಛೇದ 205(1) (ಬಿ)ರಂತೆ ಅನುದಾನಕ್ಕಿಂತ ಹೆಚ್ಚುವರಿ ವೆಚ್ಚವಾಗಿರುವ ಮೊತ್ತವನ್ನು ಸಕ್ರಮಗೊಳಿಸುವುದಕ್ಕೆ ಸಂಬಂಧಿಸಿದಂತೆ ಬೇಡಿಕೆಗಳನ್ನು ಮಂಡಿಸುವುದು.

### 2. ಶಾಸನ ರಚನೆ

I ವಿಧೇಯಕಗಳನ್ನು ಮಂಡಿಸುವುದು

**1) ಕರ್ನಾಟಕ ಕೃಷಿ ಉತ್ಪನ್ನ ಮಾರುಕಟ್ಟೆ ವ್ಯವಹಾರ (ನಿಯಂತ್ರಣ ಮತ್ತು ಅಭಿವೃದ್ಧಿ) (ಎರಡನೇ ತಿದ್ದುಪಡಿ) ವಿಧೇಯಕ, 2013**
**ಶ್ರೀ ಶಾಮನೂರು ಶಿವಶಂಕರಪ್ಪ ( ಕೃಷಿ ಮಾರುಕಟ್ಟೆ ಮತ್ತು ತೋಟಗಾರಿಕೆ ಸಚಿವರು) ಅವರು:-**

ಅ) 2013ನೇ ಸಾಲಿನ ಕರ್ನಾಟಕ **ಕೃಷಿ ಉತ್ಪನ್ನ ಮಾರುಕಟ್ಟೆ ವ್ಯವಹಾರ (ನಿಯಂತ್ರಣ ಮತ್ತು ಅಭಿವೃದ್ಧಿ)(ಎರಡನೇ ತಿದ್ದುಪಡಿ)** ವಿಧೇಯಕವನ್ನು ಮಂಡಿಸಲು ಅನುಮತಿ ಕೋರುವುದು;
ಆ) ಹಾಗೂ ವಿಧೇಯಕವನ್ನು ಮಂಡಿಸುವುದು.

**2) ಕರ್ನಾಟಕ ಎಣ್ಣೆ ತಾಳೆ (ಸಾಗುವಳಿ, ಉತ್ಪಾದನೆ ಮತ್ತು ಸಂಸ್ಕರಣೆ ನಿಯಂತ್ರಣ) ವಿಧೇಯಕ, 2013**
**ಶ್ರೀ ಶಾಮನೂರು ಶಿವಶಂಕರಪ್ಪ ( ಕೃಷಿ ಮಾರುಕಟ್ಟೆ ಮತ್ತು ತೋಟಗಾರಿಕೆ ಸಚಿವರು) ಅವರು:-**

ಅ) 2013ನೇ ಸಾಲಿನ ಕರ್ನಾಟಕ ಎಣ್ಣೆ ತಾಳೆ (ಸಾಗುವಳಿ, ಉತ್ಪಾದನೆ ಮತ್ತು ಸಂಸ್ಕರಣೆ ನಿಯಂತ್ರಣ) ವಿಧೇಯಕವನ್ನು ಮಂಡಿಸಲು ಅನುಮತಿ ಕೋರುವುದು;

ಆ) ಹಾಗೂ ವಿಧೇಯಕವನ್ನು ಮಂಡಿಸುವುದು.

**3) ಕರ್ನಾಟಕ ಧನವಿನಿಯೋಗ (ಸಂಖ್ಯೆ 3) ವಿಧೇಯಕ, 2013**
**ಶ್ರೀ ಸಿದ್ದರಾಮಯ್ಯ ( ಮುಖ್ಯಮಂತ್ರಿಯವರು) ಅವರು:-**

ಅ) 2013ನೇ ಸಾಲಿನ ಕರ್ನಾಟಕ ಧನವಿಯೋಗ (ಸಂಖ್ಯೆ 3) ವಿಧೇಯಕವನ್ನು ಮಂಡಿಸಲು ಅನುಮತಿ ಕೋರುವುದು;
ಆ) ಹಾಗೂ ವಿಧೇಯಕವನ್ನು ಮಂಡಿಸುವುದು.

**ಮ.ತಿ.ನೋ.,**

## II. ವಿಧೇಯಕಗಳನ್ನು ಪರ್ಯಾಲೋಚಿಸುವುದು ಹಾಗೂ ಅಂಗೀಕರಿಸುವುದು

**1) ಕರ್ನಾಟಕ ಕೃಷಿ ಉತ್ಪನ್ನ ಮಾರುಕಟ್ಟೆ ವ್ಯವಹಾರ (ನಿಯಂತ್ರಣ ಮತ್ತು ಅಭಿವೃದ್ಧಿ) (ಎರಡನೇ ತಿದ್ದುಪಡಿ) ವಿಧೇಯಕ, 2013**
**ಶ್ರೀ ಶಾಮನೂರು ಶಿವಶಂಕರಪ್ಪ ( ಕೃಷಿ ಮಾರುಕಟ್ಟೆ ಮತ್ತು ತೋಟಗಾರಿಕೆ ಸಚಿವರು) ಅವರು:-**

ಅ) 2013ನೇ ಸಾಲಿನ ಕರ್ನಾಟಕ **ಕೃಷಿ ಉತ್ಪನ್ನ ಮಾರುಕಟ್ಟೆ ವ್ಯವಹಾರ (ನಿಯಂತ್ರಣ ಮತ್ತು ಅಭಿವೃದ್ಧಿ)(ಎರಡನೇ ತಿದ್ದುಪಡಿ)** ವಿಧೇಯಕವನ್ನು ಪರ್ಯಾಲೋಚಿಸಬೇಕೆಂದು ಸೂಚಿಸುವುದು;

ಆ) ಹಾಗೂ ವಿಧೇಯಕವನ್ನು ಅಂಗೀಕರಿಸಬೇಕೆಂದು ಸೂಚಿಸುವುದು.

**2) ಕರ್ನಾಟಕ ಎಣ್ಣೆ ತಾಳೆ (ಸಾಗುವಳಿ, ಉತ್ಪಾದನೆ ಮತ್ತು ಸಂಸ್ಕರಣೆ ನಿಯಂತ್ರಣ) ವಿಧೇಯಕ, 2013**
**ಶ್ರೀ ಶಾಮನೂರು ಶಿವಶಂಕರಪ್ಪ (ಕೃಷಿ ಮಾರುಕಟ್ಟೆ ಮತ್ತು ತೋಟಗಾರಿಕೆ ಸಚಿವರು) ಅವರು:-**

ಅ) 2013ನೇ ಸಾಲಿನ ಕರ್ನಾಟಕ ಎಣ್ಣೆ ತಾಳೆ (ಸಾಗುವಳಿ, ಉತ್ಪಾದನೆ ಮತ್ತು ಸಂಸ್ಕರಣೆ ನಿಯಂತ್ರಣ) ವಿಧೇಯಕವನ್ನು ಪರ್ಯಾಲೋಚಿಸಬೇಕೆಂದು ಸೂಚಿಸುವುದ

ಆ) ಹಾಗೂ ವಿಧೇಯಕವನ್ನು ಅಂಗೀಕರಿಸಬೇಕೆಂದು ಸೂಚಿಸುವುದು.

**3) ಕರ್ನಾಟಕ ಧನವಿನಿಯೋಗ (ಸಂಖ್ಯೆ 3) ವಿಧೇಯಕ, 2013**
**ಶ್ರೀ ಸಿದ್ಧರಾಮಯ್ಯ ( ಮುಖ್ಯಮಂತ್ರಿಯವರು) ಅವರು:-**

ಅ) 2013ನೇ ಸಾಲಿನ ಕರ್ನಾಟಕ ಧನವಿನಿಯೋಗ (ಸಂಖ್ಯೆ 3) ವಿಧೇಯಕವನ್ನು ಪರ್ಯಾಲೋಚಿಸಬೇಕೆಂದು ಸೂಚಿಸುವುದು;

ಆ) ಹಾಗೂ ವಿಧೇಯಕವನ್ನು ಅಂಗೀಕರಿಸಬೇಕೆಂದು ಸೂಚಿಸುವುದು.

## 3. ಪ್ರಶ್ನೋತ್ತರ

**ಅ) ಸದನದಲ್ಲಿ ಉತ್ತರಿಸುವ ಪ್ರಶ್ನೆಗಳು : ಹದಿಮೂರನೇ ಪಟ್ಟಿ**

**ಆ) i) ದಿನಾಂಕ: 23ನೇ ಜುಲೈ, 2013ರ**
**ಎಂಟನೇ ಪಟ್ಟಿಯಿಂದ ತಡೆಹಿಡಿಯಲಾದ : ಮುಖ್ಯಮಂತ್ರಿಗಳು**
**ಶ್ರೀ ಬಸವರಾಜ ರಾಯರೆಡ್ಡಿ**
**ಅವರ ಚುಕ್ಕೆ ಗುರುತಿನ**
**ಪ್ರಶ್ನೆ ಸಂಖ್ಯೆ:118(639)**

**ii) ದಿನಾಂಕ: 23ನೇ ಜುಲೈ, 2013ರ**
**ಎಂಟನೇ ಪಟ್ಟಿಯಿಂದ ತಡೆಹಿಡಿಯಲಾದ : ಗೃಹ ಸಚಿವರು**
**ಶ್ರೀಮತಿ ಜೊಲ್ಲೆ ಶಶಿಕಲಾ ಅಣ್ಣಾಸಾಹೇಬ್**
**ಅವರ ಚುಕ್ಕೆ ಗುರುತಿನ**
**ಪ್ರಶ್ನೆ ಸಂಖ್ಯೆ:120(906)**

**ಪು.ತಿ.ನೋ.,**

ಇ) ಸದನದಲ್ಲಿ ಉತ್ತರಿಸುವ ಪ್ರಶ್ನೆಗಳು : ಹದಿನಾಲ್ಕನೇ ಪಟ್ಟಿ

i) ದಿನಾಂಕ: 25ನೇ ಜುಲೈ, 2013ರ ಹತ್ತನೇ ಪಟ್ಟಿಯಿಂದ ವರ್ಗಾವಣೆಗೊಂಡ ಶ್ರೀಮತಿ ಜೊಲ್ಲೆ ಶಶಿಕಲಾ ಅಣ್ಣಾಸಾಹೇಬ್ ಅವರ ಚುಕ್ಕೆ ಗುರುತಿನ ಪ್ರಶ್ನೆ ಸಂಖ್ಯೆ:143(961) : ಯೋಜನೆ ಮತ್ತು ಸಾಂಖ್ಯಿಕ ಹಾಗೂ ಮಾಹಿತಿ ತಂತ್ರಜ್ಞಾನ ಮತ್ತು ಜೈವಿಕ ತಂತ್ರಜ್ಞಾನ ಹಾಗೂ ವಿಜ್ಞಾನ ಮತ್ತು ತಂತ್ರಜ್ಞಾನ ಸಚಿವರು

ಈ) ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆಗಳು : ಹದಿಮೂರನೇ ಪಟ್ಟಿ

ಉ) ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆಗಳು : ಹದಿನಾಲ್ಕನೇ ಪಟ್ಟಿ

## 4. ಗಮನ ಸೆಳೆಯುವ ಸೂಚನೆಗಳು

1. ಶ್ರೀ ಹೆಚ್.ಸಿ. ಬಾಲಕೃಷ್ಣ ಅವರು ಮಾಗಡಿ ತಾಲ್ಲೂಕಿನ ಮಾಡಬಾಳ್ ಹೋಬಳಿ ಕೇಂದ್ರದಲ್ಲಿ ನೆಮ್ಮದಿ ಕೇಂದ್ರ ಪ್ರಾರಂಭಿಸಿದ್ದು ಮಾಗಡಿಯಿಂದ ದೂರವಿರುವುದರಿಂದ ರೈತರ ದೈನಂದಿನ ಕೆಲಸಕಾರ್ಯಗಳಿಗೆ ಅನಾನುಕೂಲವಾಗಿರುವ ಬಗ್ಗೆ ಮಾನ್ಯ ಕಂದಾಯ ಸಚಿವರ ಗಮನ ಸೆಳೆಯುವುದು.

2. ಶ್ರೀ ಎಸ್.ಆರ್. ಶ್ರೀನಿವಾಸ್ ಅವರು ಗುಬ್ಬಿ ವಿಧಾನಸಭಾ ಕ್ಷೇತ್ರದ ವ್ಯಾಪ್ತಿಯಲ್ಲಿ ಬಸವ ವಸತಿ ಯೋಜನೆಯಡಿ ಮಂಜೂರಾಗಿದ್ದ ಮನೆಗಳನ್ನು ರಾಜೀವ್ ಗಾಂಧಿ ವಸತಿ ನಿಗಮದವರು ತಡೆಹಿಡಿದಿದ್ದು ಅವುಗಳನ್ನು ತೆರವುಗೊಳಿಸಿ ಫಲಾನುಭವಿಗಳಿಗೆ ಹಣ ಬಿಡುಗಡೆ ಮಾಡುವ ಬಗ್ಗೆ ವಸತಿ ಸಚಿವರ ಗಮನ ಸೆಳೆಯುವುದು.

3. ಶ್ರೀ ಎಸ್. ಮಧು ಬಂಗಾರಪ್ಪ ಅವರು ಶಿವಮೊಗ್ಗ ಜಿಲ್ಲೆ ಸೊರಬ ವಿಧಾನಸಭಾ ಕ್ಷೇತ್ರದ ವ್ಯಾಪ್ತಿಯಲ್ಲಿ ಅತಿವೃಷ್ಠಿಯಿಂದಾಗಿ ವರದಾ ನದಿಯ ಪ್ರವಾಹದಿಂದ ಹಾನಿಯಾಗುತ್ತಿರುವ ಪ್ರದೇಶದ ಜನರಿಗೆ ಪರಿಹಾರ ನೀಡಿ ಪುನರ್‌ವಸತಿ ಕೈಗೊಳ್ಳುವ ಬಗ್ಗೆ ಮಾನ್ಯ ಕಂದಾಯ ಸಚಿವರ ಗಮನ ಸೆಳೆಯುವುದು.

4. ಶ್ರೀ ಇ. ತುಕಾರಾಂ ಅವರು ಸಂಡೂರು ತಾಲ್ಲೂಕಿನ ಅಂಕನಾಳ ಕೆರೆಯು ಅತಿವೃಷ್ಠಿಯಿಂದ ಒಡೆದಿರುವ ಪ್ರಯುಕ್ತ ಸದರಿ ಕೆರೆಯನ್ನು ಪುನರ್ ನಿರ್ಮಿಸುವ ಬಗ್ಗೆ ಮಾನ್ಯ ಸಣ್ಣ ನೀರಾವರಿ ಸಚಿವರ ಗಮನ ಸೆಳೆಯುವುದು.

5. ಶ್ರೀ ಬಿ.ಎನ್. ವಿಜಯಕುಮಾರ್ ಅವರು ಜಯನಗರ ಉಪನೋಂದಣಾಧಿಕಾರಿಗಳ ಕಛೇರಿಯನ್ನು ಜಯನಗರ ಶಾಪಿಂಗ್ ಕಾಂಪ್ಲೆಕ್ಸ್‌ಗೆ ಸ್ಥಳಾಂತರ ಮಾಡಲು ಮಹಾನಗರ ಪಾಲಿಕೆ ಒಪ್ಪಿಗೆ ನೀಡಿದ್ದರೂ ಸ್ಥಳಾಂತರ ಮಾಡದಿರುವ ಬಗ್ಗೆ ಮಾನ್ಯ ಮುಖ್ಯಮಂತ್ರಿಯವರ ಗಮನ ಸೆಳೆಯುವುದು.

ಮು.ತಿ.ನೋ.,

6. ಶ್ರೀ ಕೆ.ಎಂ. ತಿಮ್ಮರಾಯಪ್ಪ ಅವರು ಪಾವಗಡ ವಿಧಾನಸಭಾ ಕ್ಷೇತ್ರದ ವ್ಯಾಪ್ತಿಯಲ್ಲಿ ಅರ್ಹ ಫಲಾನುಭವಿಗಳಿಗೆ ಬಿಪಿಎಲ್ ಪಡಿತರ ಚೀಟಿ ದೊರೆಯದೆ ತೊಂದರೆಯುಂಟಾಗಿರುವ ಬಗ್ಗೆ ಮಾನ್ಯ ಆಹಾರ ಮತ್ತು ನಾಗರೀಕ ಸರಬರಾಜು ಹಾಗೂ ಗ್ರಾಹಕರ ವ್ಯವಹಾರಗಳ ಸಚಿವರ ಗಮನ ಸೆಳೆಯುವುದು.

7. ಡಾ॥ ಎಸ್.ಶಿವರಾಜ್ ಪಾಟೀಲ್ ಅವರು ರಾಯಚೂರಿನಲ್ಲಿ ಕೆ.ಐ.ಎ.ಡಿ.ಬಿ ಅವರು ಹೊಸ ಬಡಾವಣೆಗಳನ್ನು ನಿರ್ಮಿಸಲು ರೈತರ ಜಮೀನನ್ನು ಸ್ವಾಧೀನಪಡಿಸಿಕೊಂಡಿದ್ದು ಸದರಿ ಜಮೀನುಗಳನ್ನು ಭೂಸ್ವಾಧೀನದಿಂದ ಕೈಬಿಡುವ ಬಗ್ಗೆ ಮಾನ್ಯ ಮುಖ್ಯಮಂತ್ರಿಯವರ ಗಮನ ಸೆಳೆಯುವುದು.

8. ಡಾ॥ ಗುರುಪಾದಪ್ಪ ನಾಗಮಾರಪಳ್ಳಿ ಅವರು ಬೀದರ್ ನಗರದಲ್ಲಿ ಸಮರ್ಪಕ ಒಳಚರಂಡಿ ವ್ಯವಸ್ಥೆ ಇಲ್ಲದೆ ಸಾರ್ವಜನಿಕರಿಗೆ ತೊಂದರೆಯುಂಟಾಗುತ್ತಿರುವುದರಿಂದ ಆದ್ಯತೆಯ ಮೇಲೆ ಒಳಚರಂಡಿ ವ್ಯವಸ್ಥೆ ಕಲ್ಪಿಸುವ ಬಗ್ಗೆ ಮಾನ್ಯ ಪೌರಾಡಳಿತ, ಸ್ಥಳೀಯ ಸಂಸ್ಥೆಗಳು ಸಾರ್ವಜನಿಕ ಉದ್ದಿಮೆಗಳ ಹಾಗೂ ಅಲ್ಪಸಂಖ್ಯಾತರ ಕಲ್ಯಾಣ, ಹಜ್ ಮತ್ತು ವಕ್ಫ್ ಸಚಿವರ ಗಮನ ಸೆಳೆಯುವುದು.

9. ಶ್ರೀ ಪಿ ರಾಜೀವ್ ಅವರು ರಾಣಿ ಚೆನ್ನಮ್ಮ ವಿಶ್ವವಿದ್ಯಾನಿಲಯದಲ್ಲಿ ಹೆಚ್ಚಿನ ಪ್ರಮಾಣದಲ್ಲಿ ನೋಂದಣಿ ಶುಲ್ಕ ವಸೂಲಿ ಮಾಡುತ್ತಿರುವುದರಿಂದ ಬಡ ವಿದ್ಯಾರ್ಥಿಗಳಿಗೆ ತೊಂದರೆಯುಂಟಾಗಿರುವ ಬಗ್ಗೆ ಮಾನ್ಯ ಉನ್ನತ ಶಿಕ್ಷಣ ಮತ್ತು ಪ್ರವಾಸೋದ್ಯಮ ಸಚಿವರ ಗಮನ ಸೆಳೆಯುವುದು.

10. ಶ್ರೀ ಕೆ.ಎಂ.ಶಿವಲಿಂಗೇಗೌಡ ಅವರು ಕರ್ನಾಟಕ ಕೈಗಾರಿಕಾ ಪ್ರದೇಶಾಭಿವೃದ್ಧಿ ಮಂಡಳಿಯವರು ಕೈಗಾರಿಕಾ ಘಟಕಗಳಲ್ಲಿ ಕೆಲಸ ನಿರ್ವಹಿಸುತ್ತಿರುವ ಕೂಲಿ ಕಾರ್ಮಿಕರ ವಸತಿ ಸೌಲಭ್ಯಕ್ಕಾಗಿ ರೈತರಿಂದ ಜಮೀನನ್ನು ಸ್ವಾಧೀನಪಡಿಸಿಕೊಂಡು ನಿವೇಶನದ ಅಭಿವೃದ್ಧಿಗಾಗಿ ಪ್ರಮುಖ ಅಭಿವೃದ್ಧಿದಾರರಿಗೆ ಭೂಮಿಯನ್ನು ನೀಡಿರುವ ಬಗ್ಗೆ ಮಾನ್ಯ ಮುಖ್ಯಮಂತ್ರಿಯವರ ಗಮನ ಸೆಳೆಯುವುದು.

11. ಶ್ರೀ ಡಿ. ನಾಗರಾಜಯ್ಯ ಅವರು ಪ್ಲಾಸ್ಟಿಕ್ ಬಳಕೆಯನ್ನು ಸಂಪೂರ್ಣವಾಗಿ ನಿಷೇಧಿಸಿ ಪರಿಸರ ಮಾಲಿನ್ಯವನ್ನು ನಿಯಂತ್ರಿಸುವ ಬಗ್ಗೆ ಮಾನ್ಯ ಅರಣ್ಯ ಸಚಿವರ ಗಮನ ಸೆಳೆಯುವುದು.

12. ಶ್ರೀ ಹೆಚ್. ಎಸ್. ಶ್ರೀನಿವಾಸ್ ಅವರು ಬೀರೂರಿನಿಂದ ಅಜ್ಜಂಪುರದ ಮಾರ್ಗವಾಗಿ ಚನ್ನಗಿರಿವರೆಗಿನ ರಾಜ್ಯ ಹೆದ್ದಾರಿಯನ್ನು ದುರಸ್ತಿ ಕಾರ್ಯಕ್ಕಾಗಿ ಗ್ಯಾಮನ್ ಇಂಡಿಯಾ ಕಂಪನಿಗೆ ಗುತ್ತಿಗೆ ನೀಡಿದ್ದರೂ ಇದುವರೆವಿಗೂ ದುರಸ್ತಿಗೊಳಸದಿರುವ ಬಗ್ಗೆ ಮಾನ್ಯ ಲೋಕೋಪಯೋಗಿ ಸಚಿವರ ಗಮನ ಸೆಳೆಯುವುದು.

13. ಶ್ರೀ ಹೆಚ್. ಕೆ. ಕುಮಾರಸ್ವಾಮಿ ಅವರು ಸಕಲೇಶಪುರ ಪ್ರಥಮ ದರ್ಜೆ ಕಾಲೇಜಿನಲ್ಲಿ ಉಪನ್ಯಾಸಕರು, ಗ್ರಂಥಪಾಲಕ, ಗುಮಾಸ್ತರು ಮತ್ತು ಪ್ರಾಂಶುಪಾಲರ ಹುದ್ದೆಗಳು ಖಾಲಿಯಿರುವ ಬಗ್ಗೆ ಮಾನ್ಯ ಉನ್ನತ ಶಿಕ್ಷಣ ಮತ್ತು ಪ್ರವಾಸೋದ್ಯಮ ಸಚಿವರ ಗಮನ ಸೆಳೆಯುವುದು.

ಮು.ತಿ.ನೋ.,

14. ಶ್ರೀ ಶಿವಾನಂದ ಎಸ್. ಪಾಟೀಲ್ ಅವರು ಬಿಜಾಪುರ ಜಿಲ್ಲೆಯ ಬಸವನ ಬಾಗೇವಾಡಿ ತಾಲ್ಲೂಕಿನ ವ್ಯಾಪ್ತಿಯಲ್ಲಿ ಬರುವ ಮನಗೂಳಿ ಮತ್ತು ನಿಡಗುಂದಿ ಗ್ರಾಮಗಳನ್ನು ಕೇಂದ್ರ ಸ್ಥಳವನ್ನಾಗಿರಿಸಿ ಹೊಸ ಹೋಬಳಿ ಕೇಂದ್ರಗಳನ್ನು ರಚಿಸುವ ಬಗ್ಗೆ ಮಾನ್ಯ ಕಂದಾಯ ಸಚಿವರ ಗಮನ ಸೆಳೆಯುವುದು.

15. ಶ್ರೀ ವಿಶ್ವನಾಥ ಪಾಟೀಲ್ ಅವರು ಬೆಳವಡಿ ಮಲ್ಲಮ್ಮನ ಉತ್ಸವವನ್ನು ನಡೆಸುತ್ತಿರುವ ಹಿನ್ನಲೆಯಲ್ಲಿ ಈ ಊರನ್ನು ಪ್ರವಾಸಿ ತಾಣವಾಗಿ ಮಾಡುವ ಬಗ್ಗೆ ಮಾನ್ಯ ಉನ್ನತ ಶಿಕ್ಷಣ ಮತ್ತು ಪ್ರವಾಸೋದ್ಯಮ ಸಚಿವರ ಗಮನ ಸೆಳೆಯುವುದು.

16. ಶ್ರೀ ಎಸ್.ಟಿ. ಸೋಮಶೇಖರ್ ಅವರು ಬೃಹತ್ ಬೆಂಗಳೂರು ಮಹಾನಗರ ಪಾಲಿಕೆಯಲ್ಲಿ ಕಸ ವಿಲೇವಾರಿ ಮಾಡಲು ಹೊಸ ಮಸೂದೆಯನ್ನು ಜಾರಿಗೊಳಿಸಿದ್ದರೂ ಅಧಿಕಾರಿಗಳು ಕ್ರಮಕೈಗೊಳ್ಳದಿರುವ ಬಗ್ಗೆ ಮಾನ್ಯ ಮುಖ್ಯಮಂತ್ರಿಯವರ ಗಮನ ಸೆಳೆಯುವುದು.

17. ಶ್ರೀ ಹೆಚ್.ಡಿ.ರೇವಣ್ಣ ಅವರು ಕರ್ನಾಟಕ ಕೈಗಾರಿಕಾ ಪ್ರದೇಶಾಭಿವೃದ್ಧಿ ಮಂಡಳಿ ವತಿಯಿಂದ ಹಾಸನ ಕೈಗಾರಿಕಾ ಬೆಳವಣಿಗೆ ಕೇಂದ್ರದಲ್ಲಿ ವಿಶೇಷ ಆರ್ಥಿಕ ವಲಯ ಯೋಜನೆಯಡಿ ಎಕೋ ರೆಸಾರ್ಟ್‌ನ್ನು ಪ್ರಾರಂಭಿಸಲು ಗ್ರಾಮಕ್ಕೆ ಸೇರಿದ ದೇವಸ್ಥಾನ ಪ್ರದೇಶವನ್ನು ಮಂಜೂರು ಮಾಡಿದ್ದು ಉದ್ದೇಶಿತ ಕೈಗಾರಿಕೆಯನ್ನು ಪ್ರಾರಂಭಿಸದಿದ್ದಲ್ಲಿ ಜಮೀನನ್ನು ವಾಪಸ್ಸು ಪಡೆಯುವ ಬಗ್ಗೆ ಮಾನ್ಯ ಮುಖ್ಯಮಂತ್ರಿಯವರ ಗಮನ ಸೆಳೆಯುವುದು.

18. ಶ್ರೀ ಜೆ. ಆರ್. ಲೋಬೋ ಅವರು ದಕ್ಷಿಣ ಕನ್ನಡ ಜಿಲ್ಲೆಯ ಸಂಪಾಜೆಯಿಂದ ಮಾಣಿವರೆಗಿನ ರಾಜ್ಯ ಹೆದ್ದಾರಿಯನ್ನು ಕೆಆರ್‌ಡಿಸಿಎಲ್ ಮುಖಾಂತರ ಕೆಎಂಸಿ ಸಂಸ್ಥೆಗೆ ಅಭಿವೃದ್ಧಿಗೊಳಿಸಲು ಗುತ್ತಿಗೆ ಕೊಟ್ಟಿದ್ದರೂ ರಸ್ತೆಯನ್ನು ತ್ವರಿತವಾಗಿ ಪೂರ್ಣಗೊಳಿಸದೆ ಜನರಿಗೆ ತೊಂದರೆಯುಂಟಾಗುತ್ತಿರುವ ಬಗ್ಗೆ ಮಾನ್ಯ ಲೋಕೋಪಯೋಗಿ ಸಚಿವರ ಗಮನ ಸೆಳೆಯುವುದು.

19. ಶ್ರೀ ಮನೋಹರ ಹೆಚ್ ತಹಶೀಲ್ದಾರ್ ಅವರು ಹಾವೇರಿ ಜಿಲ್ಲೆ ಹಾನಗಲ್ ಪುರಸಭೆಯಿಂದ ಹಂಚಿಕೆ ಮಾಡಲಾದ ನಿವೇಶನದ ಬಗ್ಗೆ ಪುನರ್ ಪರಿಶೀಲಿಸಿ ಅರ್ಹ ಫಲಾನುಭವಿಗಳಿಗೆ ನಿವೇಶನಗಳನ್ನು ಹಂಚಿಕೆ ಮಾಡುವ ಬಗ್ಗೆ ಮಾನ್ಯ ಪೌರಾಡಳಿತ, ಸ್ಥಳೀಯ ಸಂಸ್ಥೆಗಳು, ಸಾರ್ವಜನಿಕ ಉದ್ದಿಮೆಗಳ ಹಾಗೂ ಅಲ್ಪಸಂಖ್ಯಾತರ ಕಲ್ಯಾಣ, ಹಜ್ ಮತ್ತು ವಕ್ಫ್ ಸಚಿವರ ಗಮನ ಸೆಳೆಯುವುದು.

20. ಡಾ|| ಕೆ.ಸುಧಾಕರ್ ಅವರು ಚಿಕ್ಕಬಳ್ಳಾಪುರ ತಾಲ್ಲೂಕಿನ ಜನ್ನಾಲಕುಂಟೆ ಪ್ರದೇಶವನ್ನು ಗಣಿಗಾರಿಕೆಯಿಂದ ರಕ್ಷಿಸುವ ಬಗ್ಗೆ ಮಾನ್ಯ ಮುಖ್ಯಮಂತ್ರಿಯವರ ಗಮನ ಸೆಳೆಯುವುದು.

21. ಶ್ರೀ ಎಂ. ರಾಜಣ್ಣ ಅವರು ಚಿಕಬಳ್ಳಾಪುರ ಜಿಲ್ಲೆ ಶಿಡ್ಲಘಟ್ಟ ನಗರದಲ್ಲಿ ಸಿಲ್ಕ್ ಟೆಕ್ ಪಾರ್ಕ್ ನಿರ್ಮಾಣ ಮಾಡುವ ಬಗ್ಗೆ ಮಾನ್ಯ ಮುಖ್ಯಮಂತ್ರಿಯವರ ಗಮನ ಸೆಳೆಯುವುದು.

22. ಶ್ರೀ ಬಿ.ಬಿ. ನಿಂಗಯ್ಯ ಅವರು ಸಿಂಗಸಂದ್ರ ಗ್ರಾಮ ಮತ್ತು ಕೂಡ್ಲು ಗ್ರಾಮಗಳಿಗೆ ಹೊಂದಿಕೊಂಡಿರುವ ಎ.ಇ.ಸಿ.ಎಸ್. ಬಡಾವಣೆಯಲ್ಲಿ ಮೂಲಭೂತ ಸೌಲಭ್ಯವಿಲ್ಲದೇ ಅಲ್ಲಿನ ನಾಗರೀಕರು ತೊಂದರೆ ಅನುಭವಿಸುತ್ತಿರುವ ಬಗ್ಗೆ ಮಾನ್ಯ ಮುಖ್ಯಮಂತ್ರಿಯವರ ಗಮನ ಸೆಳೆಯುವುದು.

23. ಶ್ರೀ ಕೆ.ಎನ್.ರಾಜಣ್ಣ ಅವರು ಬೃಹತ್ ಬೆಂಗಳೂರು ಮಹಾನಗರ ಪಾಲಿಕೆಯ ವಾರ್ಡ್ ನಂಬರ್ 50ರಲ್ಲಿನ ಕಸ್ತೂರಿನಗರ ರಾಜೀವ್ ನಗರ ಮತ್ತು ಬಾಣಸವಾಡಿಯ ಮೂಲಕ ಹಾದು ಹೋಗುವ ರಸ್ತೆಯು ಕಿರಿದಾಗಿರುವುದರಿಂದ ವಾಹನ ಸಂಚಾರಕ್ಕೆ ತೊಂದರೆಯುಂಟಾಗಿರುವ ಬಗ್ಗೆ ಮಾನ್ಯ ಮುಖ್ಯಮಂತ್ರಿಯವರ ಗಮನ ಸೆಳೆಯುವುದು.

24. ಡಾ|| ಕೆ. ಶ್ರೀನಿವಾಸ ಮೂರ್ತಿ ಅವರು ರಾಜ್ಯದಲ್ಲಿ 2006-07ರಲ್ಲಿ ಸ್ಥಾಪಿಸಲಾದ ವೈದ್ಯಕೀಯ ಕಾಲೇಜುಗಳಿಗೆ ಆರೋಗ್ಯ ಮತ್ತು ಕುಟುಂಬ ಕಲ್ಯಾಣ ಇಲಾಖೆಯಿಂದ ನೇಮಕಗೊಂಡ ವೈದ್ಯರುಗಳನ್ನು ಖಾಯಂಗೊಳಿಸಿ ಬಡ್ತಿ ನೀಡಲು ರಾಜ್ಯ ಉಚ್ಛನ್ಯಾಯಾಲಯದಿಂದ ಆದೇಶವಾಗಿದ್ದರೂ ಸರ್ಕಾರ ಕ್ರಮಕೈಗೊಳ್ಳದಿರುವ ಬಗ್ಗೆ ಮಾನ್ಯ ಆರೋಗ್ಯ ಮತ್ತು ಕುಟುಂಬ ಕಲ್ಯಾಣ ಸಚಿವರ ಗಮನ ಸೆಳೆಯುವುದು.

25. ಶ್ರೀ ಕೆ.ಬಿ. ಪ್ರಸನ್ನಕುಮಾರ್ ಅವರು ಶಿವಮೊಗ್ಗ ಜಿಲ್ಲಾದ್ಯಂತ ಭಾರಿ ಮಳೆಯಿಂದಾಗಿ ಸಾರ್ವಜನಿಕರ ಆಸ್ತಿ-ಪಾಸ್ತಿಗೆ ನಷ್ಟ ಉಂಟಾಗಿದ್ದು ಪರಿಹಾರ ನೀಡುವ ಬಗ್ಗೆ ಮಾನ್ಯ ಕಂದಾಯ ಸಚಿವರ ಗಮನ ಸೆಳೆಯುವುದು.

26. ಶ್ರೀ ರವಿ ಸುಬ್ರಹ್ಮಣ್ಯ ಅವರು 1994-95ನೇ ಸಾಲಿನಿಂದ ಪ್ರಾರಂಭವಾದ ಅನುದಾನ ರಹಿತ ಶಾಲಾ-ಕಾಲೇಜುಗಳಿಗೆ ಅನುದಾನ ಬಿಡುಗಡೆಯಾಗದಿರುವ ಬಗ್ಗೆ ಮಾನ್ಯ ಪ್ರಾಥಮಿಕ ಮತ್ತು ಪ್ರೌಢ ಶಿಕ್ಷಣ ಸಚಿವರ ಗಮನ ಸೆಳೆಯುವುದು.

## 5. ನಿಯಮ 69ರ ಮೇರೆಗೆ ಸಾರ್ವಜನಿಕ ಮಹತ್ವದ ಜರೂರು ವಿಷಯದ ಬಗ್ಗೆ ಅಲ್ಪ ಕಾಲಾವಧಿ ಚರ್ಚೆ

1. ಶ್ರೀಯುತರುಗಳಾದ ಎಸ್.ಟಿ. ಸೋಮಶೇಖರ್, ಕೆ.ಎನ್. ರಾಜಣ್ಣ ಮತ್ತು ಕೆ.ಷಡಕ್ಷರಿ ಅವರುಗಳು ಬೆಂಗಳೂರು ಅಭಿವೃದ್ಧಿ ಪ್ರಾಧಿಕಾರದ ವತಿಯಿಂದ ಸರ್.ಎಂ.ವಿಶ್ವೇಶ್ವರಯ್ಯ ಬಡಾವಣೆ, ನಾಡಪ್ರಭು ಕೆಂಪೇಗೌಡ ಬಡಾವಣೆ, ಜ್ಞಾನಭಾರತಿ ಬಡಾವಣೆ ಹಾಗೂ ಬನಶಂಕರಿ ಬಡಾವಣೆಗಳ ನಿರ್ಮಾಣಕ್ಕೆ ಜಮೀನನ್ನು ಭೂಸ್ವಾಧೀನಪಡಿಸಿಕೊಂಡು ಪರಿಹಾರವಾಗಿ ಬದಲಿ ನಿವೇಶನವನ್ನು ಕಾನೂನು ಬಾಹಿರವಾಗಿ ಹಂಚಿಕೆ ಮಾಡಿರುವ ಬಗ್ಗೆ ಚರ್ಚೆ.

2. ಶ್ರೀಯುತರುಗಳಾದ ಹೆಚ್.ಡಿ. ಕುಮಾರಸ್ವಾಮಿ, ಎನ್.ಚಲುವರಾಯಸ್ವಾಮಿ ಮತ್ತು ಹೆಚ್.ಸಿ.ಬಾಲಕೃಷ್ಣ ಅವರುಗಳು ರಾಮನಗರ ತಾಲ್ಲೂಕು ಬಿಡದಿ ಹೋಬಳಿಯ ಬೈರಮಂಗಳ ಕೆರೆಗೆ ಬೆಂಗಳೂರು ಕೊಳಚೆ ನೀರು ಸೇರಿ ಜನ ಜಾನುವಾರುಗಳಿಗೆ ತೊಂದರೆಯುಂಟಾಗುತ್ತಿರುವುದರಿಂದ ಕೊಳಚೆ ನೀರಿನ ಶುದ್ಧೀಕರಣ ಘಟಕವನ್ನು ಪ್ರಾರಂಭಿಸಿ ಆ ಭಾಗದ ಜನರಿಗೆ ಶುದ್ಧ ಕುಡಿಯುವ ನೀರು ಮತ್ತು ನಿರಂತರ ವಿದ್ಯುತ್ ಸರಬರಾಜು ಮಾಡುವ ವಿಷಯದ ಬಗ್ಗೆ ಚರ್ಚೆ.

ಮು.ತಿ.ನೋ..

3. ಶ್ರೀಯುತರುಗಳಾದ ಹೆಚ್.ಡಿ. ಕುಮಾರಸ್ವಾಮಿ, ಹೆಚ್.ಡಿ.ರೇವಣ್ಣ, ಎಸ್. ಆರ್. ಮಹೇಶ್, ಕೆ.ಎಂ.ಶಿವಲಿಂಗೇಗೌಡ ಮತ್ತು ಹೆಚ್.ಸಿ.ಬಾಲಕೃಷ್ಣ ಅವರುಗಳು ರಾಜ್ಯದಲ್ಲಿ ತಾಲ್ಲೂಕು ಹಾಗೂ ಜಿಲ್ಲಾ ಮಟ್ಟದಲ್ಲಿ ಹೊಸದಾಗಿ ಸರ್ಕಾರಿ ಶಾಲಾ ಕಾಲೇಜುಗಳು ಪ್ರಾರಂಭವಾಗಿದ್ದು ವಿದ್ಯಾರ್ಥಿಗಳ ಸಂಖ್ಯೆಗೆ ಅನುಗುಣವಾಗಿ ಹಾಸ್ಟೆಲ್‌ಗಳಲ್ಲಿ ವಸತಿ ವ್ಯವಸ್ಥೆ ಇಲ್ಲದೇ ವಿದ್ಯಾರ್ಥಿಗಳಿಗೆ ತೊಂದರೆಯಾಗಿರುವ ವಿಷಯದ ಬಗ್ಗೆ ಚರ್ಚೆ.

4. ಶ್ರೀಯುತರುಗಳಾದ ಪಿ. ರಾಜೀವ್, ತಿಪ್ಪೇಸ್ವಾಮಿ ಮತ್ತು ಅವರು ಕಬ್ಬು ಬೆಲೆ ನಿಗದಿ ಮಾಡದಿರುವುದರಿಂದ ಉಂಟಾಗಿರುವ ತೊಂದರೆಯ ಬಗ್ಗೆ ಚರ್ಚೆ.

## 6. ಅರ್ಧ ಗಂಟೆ ಕಾಲಾವಧಿ ಚರ್ಚೆ

1. ಶ್ರೀ ಹೆಚ್.ಎಸ್. ಶಿವಶಂಕರ್ ಅವರು "ಆರೋಗ್ಯ ಕವಚ ಯೋಜನೆ" ಬಗ್ಗೆ ದಿನಾಂಕ: 25.07.2013 ರಂದು ಸದನದಲ್ಲಿ ಉತ್ತರಿಸುವ ಪ್ರಶ್ನೆಗಳ 10ನೇ ಪಟ್ಟಿಯಲ್ಲಿನ ಪ್ರಶ್ನೆ ಸಂಖ್ಯೆ: 138 (1262)ಕ್ಕೆ ಒದಗಿಸಿರುವ ಉತ್ತರಕ್ಕೆ ಸಂಬಂಧಿಸಿದಂತೆ ಅರ್ಧ ಗಂಟೆ ಕಾಲ ಚರ್ಚಿಸುವುದು.

2. ಶ್ರೀ ಕೆ.ಎಂ.ಶಿವಲಿಂಗೇಗೌಡ ಅವರು "ಕೆ.ಐ.ಎ.ಡಿ.ಬಿ. ಇಲಾಖೆಯಿಂದ ಜಮೀನು ನೀಡುವುದು" ಬಗ್ಗೆ ದಿನಾಂಕ: 23.07.2013 ರಂದು ಸದನದಲ್ಲಿ ಉತ್ತರಿಸುವ ಪ್ರಶ್ನೆಗಳ 8ನೇ ಪಟ್ಟಿಯಲ್ಲಿನ ಪ್ರಶ್ನೆ ಸಂಖ್ಯೆ: 106 (1043)ಕ್ಕೆ ಒದಗಿಸಿರುವ ಉತ್ತರಕ್ಕೆ ಸಂಬಂಧಿಸಿದಂತೆ ಅರ್ಧ ಗಂಟೆ ಕಾಲ ಚರ್ಚಿಸುವುದು.

3. ಶ್ರೀ ಯಶವಂತರಾಯಗೌಡ ವಿಠ್ಠಲಗೌಡ ಪಾಟೀಲ್ ಅವರು "ಕಲಂ 371ರಲ್ಲಿ ಬಿಜಾಪುರ ಜಿಲ್ಲೆಯನ್ನು ಸೇರ್ಪಡೆ ಮಾಡುವುದು" ಬಗ್ಗೆ ದಿನಾಂಕ: 23.07.2013 ರಂದು ಸದನದಲ್ಲಿ ಉತ್ತರಿಸುವ ಪ್ರಶ್ನೆಗಳ 8ನೇ ಪಟ್ಟಿಯಲ್ಲಿನ ಪ್ರಶ್ನೆ ಸಂಖ್ಯೆ: 107(1039)ಕ್ಕೆ ಒದಗಿಸಿರುವ ಉತ್ತರಕ್ಕೆ ಸಂಬಂಧಿಸಿದಂತೆ ಅರ್ಧ ಗಂಟೆ ಕಾಲ ಚರ್ಚಿಸುವುದು.

4. ಶ್ರೀ ಶಿವಾನಂದ ಎಸ್ ಪಾಟೀಲ್ ಅವರು "ಬಿಜಾಪುರದಿಂದ ಬಾಗಲಕೋಟೆ ಹಾಗೂ ಬೆಂಗಳೂರಿಗೆ ಬರುವ ಮಾರ್ಗದಲ್ಲಿ ಆಲಮಟ್ಟಿ ಕೆಳಭಾಗದಲ್ಲಿರುವ ಎನ್.ಹೆಚ್- 13ರಲ್ಲಿ ಬರುವ ಹಳೆಯ ಕೃಷ್ಣಾ ಸೇತುವೆ ಸಂಪೂರ್ಣ ಹಾಳಾಗಿದ್ದು, ಸಂಚಾರ ಸ್ಥಗಿತಗೊಂಡಿರುವುದರಿಂದ ಸೇತುವೆ ದುರಸ್ತಿ ಮಾಡುವ" ಬಗ್ಗೆ ದಿನಾಂಕ: 29.07.2013 ರಂದು ಸದನದಲ್ಲಿ ಶೂನ್ಯ ವೇಳೆಯಲ್ಲಿ ಕೇಳಿದ ಪ್ರಶ್ನೆಗೆ ಸಂಬಂಧಿಸಿದಂತೆ ಅರ್ಧ ಗಂಟೆ ಕಾಲ ಚರ್ಚಿಸುವುದು.

**ಪಿ.ಓಂಪ್ರಕಾಶ**
ಕಾರ್ಯದರ್ಶಿ

*Raj N*